## ಕರ್ನಾಟಕ ವಿಧಾನ ಪರಿಷತ್ತು

1). ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1900

2). ಸದಸ್ಯರ ಹೆಸರು : ಶ್ರೀ ಎಸ್. ರವಿ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

3). ಉತ್ತರಿಸುವ ದಿನಾಂಕ : 26.03.2020

4). ಉತ್ತರಿಸುವ ಸಚಿವರು : ಮಾನ್ಯ ಮುಖ್ಯಮಂತ್ರಿಯವರು

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ಶಾಸಕರ ಸ್ಥಳೀಯ ಪ್ರದೇಶಾಭಿವೃದ್ಧಿ ಯೋಜನೆಯ ಅನುಷ್ಠಾನ ಅಧಿಕಾರವನ್ನು ಜಿಲ್ಲಾಧಿಕಾರಿಗಳಿಂದ ಉಪ ವಿಭಾಗಾಧಿಕಾರಿಗಳಿಗೆ ಪ್ರತ್ಯಾಯೋಜಿಸಿರುವ ಉದ್ದೇಶವೇನು; ಈ ವಿಷಯವು ಸರ್ಕಾರದ ಗಮನಕ್ಕೆ ಬಂದಿದೆಯೇ; | ಶಾಸಕರ ಸ್ಥಳೀಯ ಪ್ರದೇಶಾಭಿವೃದ್ಧಿ ಯೋಜನೆಯ ಅನುಷ್ಠಾನವು ಜಿಲ್ಲಾಧಿಕಾರಿಗಳಿಗೆ ಕೆಲಸದ ಒತ್ತಡಗಳು ಜಾಸ್ತಿ ಇರುವುದರಿಂದ ಸದರಿ ಯೋಜನೆಗೆ ನಿಗದಿಯಾಗುತ್ತಿರುವ ಅನುದಾನವು ಪೂರ್ಣ ಪ್ರಮಾಣದಲ್ಲಿ ಬಳಕೆಯಾಗುತ್ತಿರುವುದಿಲ್ಲ. ಸದರಿ ಅನುದಾನವು ಪೂರ್ಣ ಪ್ರಮಾಣದಲ್ಲಿ ಬಳಕೆ ಮಾಡಿ ಕಾಮಗಾರಿಗಳು ಅನುಷ್ಠಾನಗೊಳಿಸಲು ಉಪ ವಿಭಾಗಾಧಿಕಾರಿಗಳಿಗೆ ಸದರಿ ಕೆಲಸವನ್ನು ಪ್ರತ್ಯಾಯೋಜಿಸಲಾಗಿರುತ್ತದೆ. ಆದ್ದರಿಂದ ಈ ವಿಷಯವು ಸರ್ಕಾರದ ಗಮನಕ್ಕೆ ಬಂದಿರುತ್ತದೆ. |
| (ಆ) | ಶಾಸಕರ ಸ್ಥಳೀಯ ಪ್ರದೇಶಾಭಿವೃದ್ಧಿ ಯೋಜನೆಯ ಅನುಷ್ಠಾನ ಅಧಿಕಾರವನ್ನು ಜಿಲ್ಲಾಧಿಕಾರಿಗಳು ಮತ್ತು ಉಪ ವಿಭಾಗಾಧಿಕಾರಿಗಳ ಬದಲಾಗಿ ಅಪರ ಜಿಲ್ಲಾಧಿಕಾರಿಗಳಿಗೆ ನೀಡುವ ಬಗ್ಗೆ ಸರ್ಕಾರದ ನಿಲುವೇನು; | ಶಾಸಕರ ಸ್ಥಳೀಯ ಪ್ರದೇಶಾಭಿವೃದ್ಧಿ ಯೋಜನೆಯ ಅನುಷ್ಠಾನ ಅಧಿಕಾರವನ್ನು ಜಿಲ್ಲಾಧಿಕಾರಿಗಳಿಂದ ಉಪ ವಿಭಾಗಾಧಿಕಾರಿಗಳಿಗೆ ಪ್ರತ್ಯಾಯೋಜಿಸಲಾಗಿರುತ್ತದೆ. ಸದರಿ ಯೋಜನೆಯ ಮೇಲುಸ್ತುವಾರಿಯನ್ನು ಅಪರ ಜಿಲ್ಲಾಧಿಕಾರಿಗಳಿಗೆ ವಹಿಸಲಾಗಿರುತ್ತದೆ. |
| (ಇ) | ಅಪರ ಜಿಲ್ಲಾಧಿಕಾರಿಗಳಿಗೆ ಈ ಅಧಿಕಾರ ನೀಡಿದ್ದಲ್ಲಿ ಹೆಚ್ಚಿನ ಪ್ರಗತಿ ಸಾಧಿಸುವ ಬಗ್ಗೆ ಪರಿಶಿಲಿಸಲಾಗಿದೆಯೇ; ಈ ಬಗ್ಗೆ ಸರ್ಕಾರವು ಕೂಡಲೇ ಕ್ರಮ ಕೈಗೊಳ್ಳುವುದೇ; | ಶಾಸಕರ ಸ್ಥಳೀಯ ಪ್ರದೇಶಾಭಿವೃದ್ಧಿ ಯೋಜನೆಯ ಅನುಷ್ಠಾನ ಅಧಿಕಾರವನ್ನು ಜಿಲ್ಲಾಧಿಕಾರಿಗಳಿಂದ ಉಪ ವಿಭಾಗಾಧಿಕಾರಿಗಳಿಗೆ ಪ್ರತ್ಯಾಯೋಜಿಸಲಾಗಿದ್ದು, ಇದರ ಮೇಲುಸ್ತುವಾರಿಯನ್ನು ಅಪರ ಜಿಲ್ಲಾಧಿಕಾರಿಗಳಿಗೆ ವಹಿಸಲಾಗಿರುವುದರಿಂದ ಹೆಚ್ಚಿನ ಪ್ರಗತಿ ಸಾಧಿಸಲು ಸಾಧ್ಯವಾಗುತ್ತದೆ. |

ಸಂಖ್ಯೆ: ಪಿಡಿಎಸ್ 35 ಕೆಎಲ್ಎಸ್ 2020

ಬಿ.ಎಸ್. ಯಡಿಯೂರಪ್ಪ

(ಬಿ.ಎಸ್.ಯಡಿಯೂರಪ್ಪ)

ಮುಖ್ಯಮಂತ್ರಿ